

# ಕರ್ನಾಟಕ ವಿಧಾನ ಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ಗುರುತಿನ ಪ್ರಶ್ನೆ**

ದಿನಾಂಕ : 22-03-2021 ಪ್ರಶ್ನೆ ಸಂಖ್ಯೆ : 245 (1752)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಕೆ.ಸಿ. ಕೊಂಡಯ್ಯ (ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 22-03-2021

ಉತ್ತರಿಸುವ ಸಚಿವರು : ಅರಣ್ಯ ಹಾಗೂ ಕನ್ನಡ ಮತ್ತು ಸಂಸ್ಕೃತಿ ಸಚಿವರು

ವಿಷಯ : ನೀಲಗಿರಿ ಮತ್ತು ಅಕೇಶಿಯಾ ಮರಗಳ ಬಗ್ಗೆ

(ಅ) ಸರ್ಕಾರ ನೀಲಗಿರಿ ಮತ್ತು ಅಕೇಶಿಯಾ ಮರ ಬೆಳೆಯುವುದನ್ನು ನಿಷೇಧಿಸಿ ಆದೇಶ ಹೊರಡಿಸಿದೆಯೇ;

(ಆ) ಹೊರಡಿಸಿದ್ದಲ್ಲಿ, ಸದರಿ ಆದೇಶವನ್ನು ಹಿಂದಕ್ಕೆ ಪಡೆದು ಮಲೆನಾಡಿನ ಭಾಗದಲ್ಲಿ ಮತ್ತೆ ಮರ ಬೆಳೆಯುವುದಕ್ಕೆ ಅವಕಾಶ ಮಾಡಿಕೊಟ್ಟಿರುವುದು ನಿಜವೇ;

(ಇ) ನಿಜವಾದಲ್ಲಿ, ಈ ಭಾಗದ ಜನರು ಸರ್ಕಾರದ ನಿಲುವನ್ನು ಪ್ರತಿಭಟಿಸುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಈ) ಬಂದಿದ್ದಲ್ಲಿ, ಈ ಬಗ್ಗೆ ಸರ್ಕಾರದ ನಿಲುವೇನು?